# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | | 794 (922) |
| ಸದಸ್ಯರ ಹೆಸರು | | ಡಾ: ವೈ ಎ ನಾರಾಯಣಸ್ವಾಮಿ (ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | | 20.09.2021 |
| ಉತ್ತರಿಸಬೇಕಾದ ಸಚಿವರು | | ಮಾನ್ಯ ಉನ್ನತ ಶಿಕ್ಷಣ ಸಚಿವರು |
| **ಪ್ರಶ್ನೆ** | | **ಉತ್ತರ** |
| ಅ) | ಪದವಿ ಹಾಗೂ ಪದವಿ ಪೂರ್ವ ಕಾಲೇಜುಗಳಿಗೆ ದೈಹಿಕ ಶಿಕ್ಷಣ ನಿರ್ದೇಶಕರು/ಉಪನ್ಯಾಸಕರ ನೇಮಕಾತಿ ಪ್ರಕ್ರಿಯೆ ಯಾವ ಹಂತದಲ್ಲಿದೆ; | **ಕಾಲೇಜು ಶಿಕ್ಷಣ ಇಲಾಖೆ**<br>ಕಾಲೇಜು ಶಿಕ್ಷಣ ಇಲಾಖೆಯ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿನ ದೈಹಿಕ ಶಿಕ್ಷಣ ನಿರ್ದೇಶಕರನ್ನು ನೇಮಿಸಿಕೊಳ್ಳಲು ವಿಶೇಷ ನೇಮಕಾತಿ ನಿಯಮಗಳನ್ನು ರೂಪಿಸಲಾಗುತ್ತಿದ್ದು, ಕೂಡಲೇ ಅಂತಿಮಗೊಳಿಸ ಲಾಗುವುದು ಹಾಗೂ ಕೋವಿಡ್-19ರ ಪರಿಸ್ಥಿತಿ ಹಿನ್ನೆಲೆಯಲ್ಲಿನ ಆರ್ಥಿಕ ಇಲಾಖೆಯ ನಿರ್ಬಂದಗಳು ತೆರವುಗೊಂಡ ತರುವಾಯ ದೈಹಿಕ ಶಿಕ್ಷಣ ನಿರ್ದೇಶಕರ ನೇಮಕಾತಿಗೆ ನಿಯಮಾನುಸಾರ ಕ್ರಮವಹಿಸಲಾಗುವುದು.<br><br>**ಪದವಿ ಪೂರ್ವ ಶಿಕ್ಷಣ ಇಲಾಖೆ**<br>ಪ್ರೊ. ಎಲ್ ಆರ್ ವೈದ್ಯನಾಥನ್ ಆಯೋಗದ ವರ್ದಿಯಂತೆ ಪದವಿ ಪೂರ್ವ ಶಿಕ್ಷಣ ಇಲಾಖೆಯ 20 ಸರ್ಕಾರಿ ಪದವಿ ಪೂರ್ವ ಕಾಲೇಜುಗಳಿಗೆ ಮಾತ್ರ, ದೈಹಿಕ ಶಿಕ್ಷಣ ಉಪನ್ಯಾಸಕರ ಹುದ್ದೆಗಳು ಮಂಜೂರಾಗಿರುತ್ತವೆ. ಈ ಪೈಕಿ 10 ನೇರ ನೇಮಕಾತಿಗೆ ಮತ್ತು 10 ಬಡ್ತಿಗೆ ಮೀಸಲಿರಿಸಲಾಗಿರುತ್ತದೆ. |
| ಆ) | ಯಾವ ಕಾಲಾವಧಿಯೊಳಗೆ ನೇಮಕಾತಿಯನ್ನು ಪೂರ್ಣಗೊಳಿಸಲಾಗುವುದು? | ನೇರ ನೇಮಕಾತಿಗೆ ಮೀಸಲಿರುವ 10 ಹುದ್ದೆಗಳ ಭರ್ತಿಗಾಗಿ ಕೇಂದ್ರೀಕೃತ ದಾಖಲಾತಿ ಘಟಕಕ್ಕೆ ಪ್ರಸ್ತಾವನೆ ಸಲ್ಲಿಸುವ ಸಂಬಂಧ ಪ್ರಕ್ರಿಯೆಯು ಪರಿಶೀಲನೆಯಲ್ಲಿರುತ್ತದೆ.<br>ಬಡ್ತಿಗೆ ಮೀಸಲಿರುವ 10 ಹುದ್ದೆಗಳ ಭರ್ತಿಗಾಗಿ ಎಂ.ಪಿ.ಇ.ಡಿ ಸ್ನಾತಕೋತ್ತರ ಪದವಿಯನ್ನು ದ್ವಿತೀಯ ದರ್ಜೆಯಲ್ಲಿ ಉತ್ತೀರ್ಣ ಹೊಂದಿರುವ ಸಾರ್ವಜನಿಕ ಶಿಕ್ಷಣ ಇಲಾಖೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ಅರ್ಹ ಗ್ರೇಡ್-1 ದೈಹಿಕ ಶಿಕ್ಷಣ ಶಿಕ್ಷಕರ ವ್ಯಕ್ತಿಪೂರ್ವೋತ್ತರ ದಾಸ್ತಾವೇಜುಗಳನ್ನು ಸಲ್ಲಿಸಲು ದಿನಾಂಕ:07.07.2021ರ ಪತ್ರದಲ್ಲಿ ಸಾರ್ವಜನಿಕ ಶಿಕ್ಷಣ ಇಲಾಖೆಯನ್ನು ಕೋರಲಾಗಿದ್ದು, ಮಾಹಿತಿ ಸ್ವೀಕೃತವಾದ ಕೂಡಲೇ ಮುಂದಿನ ಕ್ರಮ ಕೈಗೊಳ್ಳಲಾಗುವುದು. |

**ಇಡಿ 08 ಯುಇಸಿ 2021**

**(ಡಾ: ಅಶ್ವಥ್ ನಾರಾಯಣ ಸಿ.ಎನ್)**
ಉನ್ನತ ಶಿಕ್ಷಣ, ಐಟಿ-ಬಿಟಿ, ವಿಜ್ಞಾನ ಮತ್ತು ತಂತ್ರಜ್ಞಾನ,
ವಿದ್ಯುನ್ಮಾನ ಹಾಗೂ ಕೌಶಲ್ಯಾಭಿವೃದ್ಧಿ,
ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು.